ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಲೋಕೋಪಯೋಗಿ ಇಲಾಖೆಯ ಎಸ್‌ಸಿಪಿ/ಟಿಎಸ್‌ಪಿ ಕಾಮಗಾರಿಗಳ ಕುರಿತು

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು):-

213 (225) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳಿಂದ ಲೋಕೋಪಯೋಗಿ ಇಲಾಖೆಯಿಂದ ಎಸ್‌ಸಿಪಿ ಮತ್ತು ಟಿಎಸ್‌ಪಿ ಯೋಜನೆಯಡಿಯಲ್ಲಿ ಬೀದರ್ ಜಿಲ್ಲೆಗೆ ಮಂಜೂರಾದ ಅನುದಾನ ಎಷ್ಟು; (ವರ್ಷವಾರು, ತಾಲ್ಲೂಕುವಾರು ಕಾಮಗಾರಿವಾರು ಸಂಪೂರ್ಣ ಮಾಹಿತಿ ನೀಡುವುದು)

(ಆ) ಮಂಜೂರಾದ ಅನುದಾನದಲ್ಲಿ ಯಾವ ಯಾವ ಕಾಮಗಾರಿಗಳನ್ನು ಕೈಗೊಳ್ಳಲಾಗಿದೆ; (ಕಾಮಗಾರಿಯ ಸ್ಥಳ (ಗ್ರಾಮ), ಕಾಮಗಾರಿಗೆ ತಗುಲಿದ ವೆಚ್ಚ, ಕಾಮಗಾರಿ ನಿರ್ವಹಿಸಿದ ಗುತ್ತಿಗೆದಾರರ ಹೆಸರು, ವಿಧಾನಸಭಾ ಕ್ಷೇತ್ರವಾರು, ವರ್ಷವಾರು ಸಂಪೂರ್ಣ ಮಾಹಿತಿ ನೀಡುವುದು)

(ಇ) ಮಂಜೂರಾದ ಕಾಮಗಾರಿಗಳನ್ನು ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಕಾಲೋನಿಗಳಲ್ಲಿ ಕೈಗೊಳ್ಳದೇ ಬೇರೆ ಬೇರೆ ಕಡೆಗಳಲ್ಲಿ ಕೈಗೊಂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಕಾರಣಕರ್ತರಾದ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳಲಾಗಿದೆಯೇ; (ವಿವರ ಒದಗಿಸುವುದು)